# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಎಂಟನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಬುಧವಾರ, ದಿನಾಂಕ 09ನೇ ಡಿಸೆಂಬರ್, 2020
(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಮೂರನೇ ಪಟ್ಟಿ

## 2. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

I. **ಶ್ರೀ ಬಿ.ಎಸ್. ಯಡಿಯೂರಪ್ಪ (ಮುಖ್ಯಮಂತ್ರಿಗಳು) ಅವರು:–**

ಭಾರತ ಸಂವಿಧಾನದ 151(2)ನೇ ಅನುಚ್ಛೇದದ ಮೇರೆಗೆ, ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ ಮಾರ್ಚ್ 2019ಕ್ಕೆ ಕೊನೆಗೊಂಡ ವರ್ಷದ ಸಾಮಾನ್ಯ ಮತ್ತು ಸಾಮಾಜಿಕ ವಲಯದ ವರದಿಯನ್ನು (2020ನೇ ವರ್ಷದ ವರದಿ ಸಂಖ್ಯೆ–3) ಸಭೆಯ ಮುಂದಿಡುವುದು:

II. **ಕಾರ್ಯದರ್ಶಿಯವರು:–**

ಕರ್ನಾಟಕ ವಿಧಾನ ಪರಿಷತ್ತಿನಿಂದ ತಿದ್ದುಪಡಿಗಳೊಂದಿಗೆ ಅಂಗೀಕಾರವಾದ ರೂಪದಲ್ಲಿರುವ 2020ನೇ ಸಾಲಿನ ಕರ್ನಾಟಕ ಭೂ ಸುಧಾರಣೆಗಳ (ಎರಡನೇ ತಿದ್ದುಪಡಿ) ವಿಧೇಯಕವನ್ನು ಸಭೆಯ ಮುಂದಿಡುವುದು.

... 2/ ..

## 3. ವರದಿಗಳನ್ನೊಪ್ಪಿಸುವುದು

1) **ಶ್ರೀ ಎಸ್. ರಘು** (ಅಧ್ಯಕ್ಷರು, ಜಂಟಿ ಪರಿಶೀಲನಾ ಸಮಿತಿ) ಅವರು 2020ನೇ ಸಾಲಿನ ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವಿಧೇಯಕವನ್ನು ಪರಿಶೀಲಿಸಲು ರಚಿಸಲಾಗಿರುವ ಜಂಟಿ ಪರಿಶೀಲನಾ ಸಮಿತಿಯ ವರದಿಯನ್ನೊಪ್ಪಿಸುವುದು.

2) **ಶ್ರೀ ಎಸ್. ಕುಮಾರ್ ಬಂಗಾರಪ್ಪ** (ಅಧ್ಯಕ್ಷರು, ಅಧೀನ ಶಾಸನ ರಚನಾ ಸಮಿತಿ) ಅವರು 2019-20 ಮತ್ತು 2020-21ನೇ ಸಾಲಿನ ಕರ್ನಾಟಕ ವಿಧಾನಮಂಡಲದ ಅಧೀನ ಶಾಸನ ರಚನಾ ಸಮಿತಿಯ 49ನೇ ವರದಿಯನ್ನೊಪ್ಪಿಸುವುದು.

## 4. ಅರ್ಜಿಯನ್ನೊಪ್ಪಿಸುವುದು

**ಶ್ರೀ ಆನಂದ್ ಅಲಿಯಾಸ್ ವಿಶ್ವನಾಥ್ ಚಂದ್ರಶೇಖರ ಮಾಮನಿ** (ಮಾನ್ಯ ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ಅರ್ಜಿಗಳ ಸಮಿತಿ) ಅವರು ಮೊಬೈಲ್ ಟವರ್ ಕಂಪನಿಗಳು ಗ್ರಾಮ ಪಂಚಾಯಿತಿ ಮತ್ತು ನಗರ ಸ್ಥಳೀಯ ಸಂಸ್ಥೆಗಳಿಗೆ ನಿಯಮಾನುಸಾರ ತೆರಿಗೆ ಪಾವತಿಸದೆ ಸರ್ಕಾರದ ಬೊಕ್ಕಸಕ್ಕೆ ಕೋಟ್ಯಾಂತರ ರೂಪಾಯಿ ನಷ್ಟವಾಗುತ್ತಿರುವ ಬಗ್ಗೆ ಅರ್ಜಿಯನ್ನೊಪ್ಪಿಸುವುದು.

## 5. ವಿತ್ತೀಯ ಕಾರ್ಯಕಲಾಪಗಳು

2020-21ನೇ ಸಾಲಿನ ಪೂರಕ ಅಂದಾಜುಗಳ (ಎರಡನೇ ಕಂತು) ಮೇಲೆ ಚರ್ಚೆ, ಸರ್ಕಾರದ ಉತ್ತರ ಮತ್ತು ಮತಕ್ಕೆ ಹಾಕುವುದು.

... 3/ ..

## 6. ಶಾಸನ ರಚನೆ

### I. ವಿಧೇಯಕವನ್ನು ಮಂಡಿಸುವುದು

**ಶ್ರೀ ಅರಬೈಲ್ ಶಿವರಾಂ ಹೆಬ್ಬಾರ್ (ಮಾನ್ಯ ಕಾರ್ಮಿಕ ಮತ್ತು ಸಕ್ಕರೆ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಅಂಗಡಿಗಳು ಮತ್ತು ವಾಣಿಜ್ಯ ಸಂಸ್ಥೆಗಳ (ಎರಡನೇ ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II. ವಿಧೇಯಕವನ್ನು ಪುನರ್ ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

**ಶ್ರೀ ಆರ್. ಅಶೋಕ (ಮಾನ್ಯ ಕಂದಾಯ ಸಚಿವರು) ಅವರು:-**

ಅ) ಕರ್ನಾಟಕ ವಿಧಾನ ಪರಿಷತ್ತಿನಿಂದ ತಿದ್ದುಪಡಿಗಳೊಂದಿಗೆ ಅಂಗೀಕಾರವಾದ ರೂಪದಲ್ಲಿರುವ 2020ನೇ ಸಾಲಿನ ಕರ್ನಾಟಕ ಭೂ ಸುಧಾರಣೆಗಳ (ಎರಡನೇ ತಿದ್ದುಪಡಿ) ವಿಧೇಯಕವನ್ನು ಪುನರ್ ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

### III. ವಿಧೇಯಕಗಳನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

1. **ಶ್ರೀ ಜೆ.ಸಿ. ಮಾಧುಸ್ವಾಮಿ (ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ ಹಾಗೂ ಸಣ್ಣ ನೀರಾವರಿ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಸಂಸದೀಯ ಕಾರ್ಯದರ್ಶಿಗಳ ವೇತನ, ಭತ್ಯೆಗಳು ಮತ್ತು ಸಂಕೀರ್ಣ ಉಪಬಂಧಗಳ (ನಿರಸನಗೊಳಿಸುವ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

... 4/ ..

2. **ಶ್ರೀ ಆರ್. ಅಶೋಕ (ಮಾನ್ಯ ಕಂದಾಯ ಸಚಿವರು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ಸ್ಟಾಂಪು (ಎರಡನೇ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಡಾ. ಅಶ್ವಥ ನಾರಾಯಣ ಸಿ.ಎನ್. (ಮಾನ್ಯ ಉಪ ಮುಖ್ಯಮಂತ್ರಿಗಳು) ಅವರು:-**

ಅ) 2020ನೇ ಸಾಲಿನ ಕರ್ನಾಟಕ ರಾಜ್ಯ ವಿಶ್ವವಿದ್ಯಾನಿಲಯಗಳ ಮತ್ತು ಕೆಲವು ಇತರ ಕಾನೂನು (ಎರಡನೇ ತಿದ್ದುಪಡಿ) ವಿಧೇಯಕದ ಮೇಲೆ ಮುಂದುವರೆದ ಚರ್ಚೆ;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 7. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಸಿದ್ದರಾಮಯ್ಯ, ಡಾ: ಜಿ. ಪರಮೇಶ್ವರ್, ಕೃಷ್ಣ ಬೈರೇಗೌಡ, ಈಶ್ವರ ಖಂಡ್ರೆ, ಪ್ರಿಯಾಂಕ್ ಖರ್ಗೆ, ತನ್ವೀರ್ ಸೇಠ್ ಹಾಗೂ ಇತರರು** – ರಾಜ್ಯದಲ್ಲಿ ಇತ್ತೀಚೆಗೆ ಸಂಭವಿಸಿದ ನೆರೆಹಾವಳಿಯಿಂದ ಸಂಕಷ್ಟಕ್ಕೊಳಗಾಗಿರುವವರಿಗೆ ಪರಿಹಾರ ನೀಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ.

2) **ಶ್ರೀಯುತರುಗಳಾದ ವಿ. ಸುನಿಲ್ ಕುಮಾರ್, ಲಾಲಾಜಿ ಆರ್. ಮೆಂಡನ್, ಸಂಜೀವ್ ಮಠಂದೂರು ಅವರುಗಳು** – ದಕ್ಷಿಣ ಕನ್ನಡ ಮತ್ತು ಉಡುಪಿ ಜಿಲ್ಲೆಗಳಲ್ಲಿ ಸಂಗ್ರಹಣೆ ಕೊರತೆಯಿಂದಾಗಿ ನೀರು ಪೋಲಾಗುತ್ತಿರುವುದನ್ನು ತಡೆಗಟ್ಟಲು ಪಶ್ಚಿಮ ವಾಹಿನಿ ಯೋಜನೆಯನ್ನು ಅನುಷ್ಠಾನಗೊಳಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

3) **ಶ್ರೀಯುತರುಗಳಾದ ಕೆ.ಎಸ್. ಲಿಂಗೇಶ್, ಹೆಚ್.ಕೆ. ಕುಮಾರಸ್ವಾಮಿ ಮತ್ತು ಆರ್. ಮಂಜುನಾಥ್ ಅವರುಗಳು** – ಹೇಮಾವತಿ/ಯಗಚಿ/ವಾಟೆಹೊಳೆ ಜಲಾಶಯ ನಿರ್ಮಾಣಕ್ಕಾಗಿ ಜಮೀನು ಕಳೆದುಕೊಂಡ ಸಂತ್ರಸ್ತರಿಗೆ ಜಮೀನು ಮಂಜೂರು ಮಾಡುವ ವಿಚಾರದಲ್ಲಿ ಅಧಿಕಾರ ದುರ್ಬಳಕೆ ಮಾಡಿಕೊಂಡಿರುವ ಅಧಿಕಾರಿ/ನೌಕರರ ವಿರುದ್ಧ ಶಿಸ್ತು ಕ್ರಮ ಜರುಗಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

4) **ಡಾ: ಕೆ. ಅನ್ನದಾನಿ, ಶ್ರೀಯುತರುಗಳಾದ ಹೆಚ್.ಡಿ. ರೇವಣ್ಣ ಕೆ.ಎಸ್. ಲಿಂಗೇಶ್, ಎ.ಟಿ. ರಾಮಸ್ವಾಮಿ ಆರ್. ಮಂಜುನಾಥ್ ಹಾಗೂ ಇತರರು** – ಕರ್ನಾಟಕ ರಾಜ್ಯ ಸಹಕಾರಿ ಅಪೆಕ್ಸ್ ಬ್ಯಾಂಕ್‌ನಲ್ಲಿ ನಡೆದಿರುವ ಅವ್ಯವಹಾರಗಳ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

# 8. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಎಸ್. ಕುಮಾರ ಬಂಗಾರಪ್ಪ ಅವರು** – ಸೊರಬ ತಾಲ್ಲೂಕಿನ ಕಚವಿ ಏತ ನೀರಾವರಿ ಯೋಜನೆಯ ಕಳಪೆ ಕಾಮಗಾರಿಯ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

2) **ಶ್ರೀ ಎ.ಎಸ್. ಜಯರಾಮ್ (ಮಸಾಲ ಜಯರಾಮ್) ಅವರು** – ತುರುವೇಕೆರೆ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಬಗರ್ ಹುಕುಂ ಸಮಿತಿಗೆ ಅರ್ಜಿ ಸಲ್ಲಿಸಿರುವ ರೈತರಿಗೆ ಜಮೀನು ಮಂಜೂರು ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

3) **ಶ್ರೀ ವೆಂಕಟರಾವ್ ನಾಡಗೌಡ ಅವರು** – ಸಿಂಧನೂರು ನಗರಸಭೆ ವ್ಯಾಪ್ತಿಯ ಶಿವಜ್ಯೋತಿ ನಗರದ ಖಾಸಗಿ ಬಡಾವಣೆಯಲ್ಲಿ ಅನಧಿಕೃತವಾಗಿ ಯು.ಜಿ.ಡಿ ಕಾಮಗಾರಿಯನ್ನು ಕೈಗೊಂಡಿರುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

4) **ಶ್ರೀ ರವೀಂದ್ರ ಶ್ರೀಕಂಠಯ್ಯ ಅವರು** – ಆಶಾ ಕಾರ್ಯಕರ್ತೆಯರಿಗೆ ಸೇವಾ ಭದ್ರತೆ ನೀಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

5) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು** – ವಿಜಯಪುರ ಜಿಲ್ಲೆಯಲ್ಲಿ ಬೆಳೆದಿರುವ ತೋಟಗಾರಿಕಾ ಬೆಳೆಗಳನ್ನು ರಫ್ತು ಮಾಡಲು ಕಾರ್ಗೋ ವಿಮಾನಯಾನ ಆರಂಭಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

6) **ಶ್ರೀ ಎಸ್.ಎ. ರಾಮದಾಸ್ ಅವರು** – ಕರ್ನಾಟಕ ಖಾಸಗಿ ವೈದ್ಯಕೀಯ ಸಂಸ್ಥೆಗಳ ಅಧಿನಿಯಮ ಅನುಷ್ಠಾನದಲ್ಲಿ ಉಂಟಾಗುತ್ತಿರುವ ವಿಳಂಬದ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

7) **ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ ಅವರು** – ಬಯಲು ಸೀಮೆಯ ಕೆಲವು ಜಿಲ್ಲೆಗಳಲ್ಲಿ ಎತ್ತಿನಹೊಳೆ ಯೋಜನೆಯಡಿ ಕೆರೆಗಳಿಗೆ ನೀರು ತುಂಬಿಸಲು ಜಲಾಶಯ ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

8) **ಶ್ರೀ ಟಿ.ಡಿ. ರಾಜೇಗೌಡ ಅವರು** – ಶೃಂಗೇರಿ ವಿಧಾನಸಭಾ ಕ್ಷೇತ್ರದ ಗ್ರಾಮೀಣ ರಸ್ತೆ ಅಭಿವೃದ್ಧಿ ಕಾಮಗಾರಿಗಳಿಗೆ ಅನುದಾನವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್‌ರಾಜ್ ಸಚಿವರ ಗಮನ ಸೆಳೆಯುವುದು.

9) **ಶ್ರೀ ಎಸ್.ಎನ್. ಸುಬ್ಬಾರೆಡ್ಡಿ ಅವರು** – ಬಾಗೇಪಲ್ಲಿ ಪಟ್ಟಣದಲ್ಲಿ ಸರ್ಕಾರಿ ಜಮೀನನ್ನು ಕಬಳಿಕೆ ಮಾಡಿ ನಿರ್ಮಾಣ ಮಾಡಿರುವ ಕಟ್ಟಡಗಳನ್ನು ತೆರವುಗೊಳಿಸುವ ಬಗ್ಗೆ ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರ ಗಮನ ಸೆಳೆಯುವುದು

10) **ಶ್ರೀ ದೇವಾನಂದ್ ಫುಲಸಿಂಗ್ ಚವ್ಹಾಣ್ ಅವರು** –ವಿಜಯಪುರ ಜಿಲ್ಲೆಯಲ್ಲಿ ನಡೆದಿರುವಂಥಹ ಅಪರಾಧ ಪ್ರಕರಣಗಳ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

11) **ಶ್ರೀ ಎಂ.ಪಿ. ಕುಮಾರಸ್ವಾಮಿ, ಶ್ರೀ ಹೆಚ್.ಕೆ. ಕುಮಾರಸ್ವಾಮಿ ಹಾಗೂ ಇತರರು** – ಕಸ್ತೂರಿ ರಂಗನ್ ವರದಿಯ ಪಾಲನೆಯಿಂದ ಉಂಟಾಗುವ ಸಮಸ್ಯೆಗಳ ಬಗ್ಗೆ ಪಶ್ಚಿಮ ಘಟ್ಟದ ರೈತರು, ಕೃಷಿ ಕಾರ್ಮಿಕರು ಹಾಗೂ ಮೂಲ ನಿವಾಸಿಗಳು ಆತಂಕಗೊಂಡಿರುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

12) **ಶ್ರೀ ಜಿ. ಕರುಣಾಕರ ರೆಡ್ಡಿ ಅವರು** – ಹರಪನಹಳ್ಳಿಯನ್ನು ಹೊಸದಾಗಿ ಜಿಲ್ಲಾ ಕೇಂದ್ರವನ್ನಾಗಿ ಘೋಷಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

13) **ಶ್ರೀ ಜೆ.ಎನ್. ಗಣೇಶ್ ಅವರು** – ಕಂಪ್ಲಿ ವಿಧಾನಸಭಾ ಕ್ಷೇತ್ರವನ್ನು ಬಳ್ಳಾರಿ ಜಿಲ್ಲೆಗೆ ಸೇರಿಸಿರುವುದರಿಂದ ಜನ ಸಾಮಾನ್ಯರು ಎದುರಿಸುತ್ತಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

14) **ಡಾ|| ಕೆ. ಅನ್ನದಾನಿ ಅವರು** – ಮಂಡ್ಯ ಜಿಲ್ಲೆ ಮಳವಳ್ಳಿ ತಾಲ್ಲೂಕಿನಲ್ಲಿ ಅಪೂರ್ಣಗೊಂಡಿರುವ ಪೂರಿಗಾಲಿ ಸಮಗ್ರ ಹನಿ/ತುಂತುರು ನೀರಾವರಿ ಯೋಜನೆಯ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

15) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹೊಳೆನರಸೀಪುರ ನಗರದಲ್ಲಿ ಸರ್ಕಲ್ ಇನ್ಸಪೆಕ್ಟರ್ ಕಛೇರಿ ಹಾಗೂ ಗ್ರಾಮಾಂತರ ಪೊಲೀಸ್ ಠಾಣೆಯ ಕಛೇರಿಗಳ ಕಟ್ಟಡಗಳನ್ನು ನಿರ್ಮಿಸಲು ಅನುದಾನ ನೀಡುವ ಬಗ್ಗೆ ಮಾನ್ಯ ಉಪ ಮುಖ್ಯಮಂತ್ರಿಯವರ (ಲೋಕೋಪಯೋಗಿ)ಗಮನ ಸೆಳೆಯುವುದು.

16) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಚೆಸ್ಕಾಂ ವಿಭಾಗದ ರೈತರ ನೀರಾವರಿ ಪಂಪ್ ಸೆಟ್ ಗಳಿಗೆ ವಿದ್ಯುತ್ ಕಲ್ಪಿಸುವ ಕಾಮಗಾರಿಯ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

**ಎಂ.ಕೆ. ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm